ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ನೂರ ನಲವತ್ತಮೂರನೆಯ ಅಧಿವೇಶನ

ಗುರುವಾರ, ದಿನಾಂಕ: 4ನೇ ಫೆಬ್ರುವರಿ, 2021

PSI, RSI PC ನೇಮಕಾತಿಗೆ ಆನ್‌ಲೈನ್‌ನಲ್ಲಿ ಅರ್ಜಿ ಸಲ್ಲಿಸುವ ಬಗ್ಗೆ

ಶ್ರೀ ಎಂ.ನಾರಾಯಣಸ್ವಾಮಿ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ) :-

367 (483) ಮಾನ್ಯ ಗೃಹ ಮತ್ತು ಕಾನೂನು, ಸಂಸದೀಯ ವ್ಯವಹಾರಗಳು ಹಾಗೂ ಶಾಸನ ರಚನೆ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ರಾಜ್ಯ ಪೋಲಿಸ್ ಇಲಾಖೆಯಲ್ಲಿ ಯಾವುದೇ ಹುದ್ದೆಗಳ (PSI, RSI PC) ನೇಮಕಾತಿ ಮಾಡಿಕೊಳ್ಳುವಾಗ ಅಭ್ಯರ್ಥಿಗಳು ಆನ್‌ಲೈನ್ ಅರ್ಜಿ ಸಲ್ಲಿಸುವಾಗ ಅರ್ಜಿ ನಮೂನೆಯಲ್ಲಿ ಪರೀಕ್ಷಾ ಕೇಂದ್ರವನ್ನು ಆಯ್ಕೆ ಮಾಡಿಕೊಳ್ಳಲು ಅವಕಾಶವಿಲ್ಲದೇ ಇರುವುದು ನಿಜವೇ; (ಕಾರಣಗಳೇನು)

(ಆ) KPSC, KEA ಹಾಗೂ ಇನ್ನಿತರೆ ಪರೀಕ್ಷಾ ಪ್ರಾಧಿಕಾರ ಸಂಸ್ಥೆಗಳು ಅಭ್ಯರ್ಥಿಗಳಿಗೆ ಪರೀಕ್ಷಾ ಕೇಂದ್ರವನ್ನು ಆಯ್ಕೆ ಮಾಡಲು ಅವಕಾಶವನ್ನು ನೀಡುತಿದ್ದು ಈ ಪದ್ಧತಿಯು KSP ಗೆ ಏಕೆ ಅನ್ವಯಿಸುವುದಿಲ್ಲ;

(ಇ) ರಾಜ್ಯದ ಲಕ್ಷಾಂತರ ಬಡ ಅಭ್ಯರ್ಥಿಗಳು ಓದು ಮತ್ತು ಕೆಲಸಕ್ಕಾಗಿ ಬೆಂಗಳೂರು, ಧಾರವಾಡದಂತಹ ದೂರದ ಊರಿಗೆ ವಲಸೆ ಬರುತ್ತಿದ್ದು, ಇಂತಹ ಅಭ್ಯರ್ಥಿಗಳಿಗೆ ಪರೀಕ್ಷೆಯನ್ನು ಬರೆಯಲು ಅವರ ದೂರದ ಊರುಗಳಿಗೆ ಹೋಗಲು ಆಗುತ್ತಿಲ್ಲದಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಈ) ಇದರಿಂದ ಎಷ್ಟೋ ಅಭ್ಯರ್ಥಿಗಳು ಪರೀಕ್ಷೆಗೆ ಹಾಜರಾಗದೆ ಅವಕಾಶ ವಂಚಿತರಾಗುತ್ತಿದ್ದು, ಇದರ ಬಗ್ಗೆ ಸರ್ಕಾರದ ನಿಲುವೇನು?